ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

ಬೆಂಗಳೂರು ಅಭಿವೃದ್ಧಿ ಪ್ರಾಧಿಕಾರದಲ್ಲಿ ಬೆಳಕಿಗೆ ಬಂದಿರುವ ವಿವಿಧ ಹಗರಣಗಳ ಕುರಿತು

ಶ್ರೀ ಕೆ. ಗೋವಿಂದರಾಜ್ (ವಿಧಾನಸಭೆಯಿಂದ ಚುನಾಯಿತರಾದವರು) :-

351(393) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕಳೆದ ಮೂರು ವರ್ಷಗಳ ಅವಧಿಯಲ್ಲಿ ಬೆಂಗಳೂರು ಅಭಿವೃದ್ಧಿ ಪ್ರಾಧಿಕಾರದಲ್ಲಿ ಬೆಳಕಿಗೆ ಬಂದಿರುವ ವಿವಿಧ ಹಗರಣಗಳ ಬಗ್ಗೆ ಸರ್ಕಾರ ಗಂಭೀರವಾಗಿ ಆಲೋಚಿಸಿದೆಯೇ; ಹಾಗಿದ್ದಲ್ಲಿ, ಈ ಕುರಿತಾದ ಹಗರಣ, ಕಾರಣಕರ್ತರು, ತಪ್ಪಿತಸ್ಥರ ವಿರುದ್ಧ ಕೈಗೊಂಡ ಕ್ರಮಗಳೇನು; (ಹಗರಣವಾರು ಪ್ರತ್ಯೇಕವಾದ ಸಂಪೂರ್ಣ ಮಾಹಿತಿ ಒದಗಿಸುವುದು)

(ಆ) ಬೆಂಗಳೂರು ನಗರದ ಸಮಗ್ರ ಅಭಿವೃದ್ಧಿ ಮತ್ತು ಬೆಂಗಳೂರು ನಾಗರೀಕರ ವಸತಿ ಸಮಸ್ಯೆಗಳಿಗೆ ಸ್ಪಂದಿಸಬೇಕಾದ ಬೆಂಗಳೂರು ಅಭಿವೃದ್ಧಿ ಪ್ರಾಧಿಕಾರವು ಸದಾಕಾಲ ಹಗರಣಗಳಲ್ಲಿ ಭಾಗಿಯಾಗುತ್ತಿರುವ ಗಂಭೀರ ವಿಷಯವನ್ನು ಸರ್ಕಾರ ಯಾವ ರೀತಿಯಲ್ಲಿ ನಿಭಾಯಿಸಲು ಆಲೋಚಿಸಿದೆ; ಕಾಯಕಲ್ಪದ ದೃಷ್ಟಿಯಲ್ಲಿ ಕೈಗೊಂಡಿರುವ ಕ್ರಮಗಳೇನು ? (ಸಂಪೂರ್ಣ ವಿವರ ಒದಗಿಸುವುದು)